ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಹೈದರಾಬಾದ್ ಕರ್ನಾಟಕ ಮತ್ತು ಮಧ್ಯ ಕರ್ನಾಟಕ ಸರ್ಕಾರಿ ಸಾರಿಗೆ ಸಂಸ್ಥೆಯ ಬಸ್ಸುಗಳು ಇಲ್ಲದಿರುವ ಕುರಿತು

ಶ್ರೀ ಹೆಚ್. ಎಂ. ರಮೇಶಗೌಡ(ವಿಧಾನಸಭೆಯಿಂದ ಚುನಾಯಿತರಾದವರು):-

126 (1101) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಹೈದರಾಬಾದ್ ಕರ್ನಾಟಕ ವ್ಯಾಪ್ತಿಯ ಬೀದರ್ ಜಿಲ್ಲೆಯಲ್ಲಿ ಹಾಗೂ ಮಧ್ಯ ಕರ್ನಾಟಕ ತುಮಕೂರು ಜಿಲ್ಲೆಯಲ್ಲಿ ಈವರೆಗೂ ಸರ್ಕಾರಿ ಸಾರಿಗೆ ಸಂಸ್ಥೆಯ ಬಸ್ ಸೌಕರ್ಯಗಳಿಲ್ಲದ ಹಲವು ಗ್ರಾಮಗಳಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ಭಾಗದಲ್ಲಿ ಸಾರಿಗೆ ವ್ಯವಸ್ಥೆ ಕಲ್ಪಿಸಲು ಯಾವ ಯಾವ ಕ್ರಮಗಳನ್ನು ಕೈಗೊಂಡಿದೆ ;

(ಆ) ಸಾರಿಗೆ ಕಛೇರಿಯಲ್ಲಿ ಡಿಪೋ ಮ್ಯಾನೇಜರ್ಗಳಿಂದ ಸರ್ಕಾರಿ ಸಾರಿಗೆ ಬಸ್‌ಗಳ ಡ್ರೈವರ್ ಹಾಗೂ ಕಂಡಕ್ಟರ್ ನಿರಂತರ ಹಿಂಸೆ ಅನುಭವಿಸುತ್ತಿದ್ದಾರೆ ಎನ್ನುವ ದೂರುಗಳು ಕೇಳಿ ಬಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಕೈಗೊಂಡ ಪರಿಹಾರ ಕ್ರಮಗಳೇನು ; (ವಿವರ ನೀಡುವುದು)

(ಇ) ತುಮಕೂರು ಗಣಿ ಬಾಧಿತ ತಾಲ್ಲೂಕುಗಳಾದ ಗುಬ್ಬಿ, ತಿಪಟೂರು, ಚಿಕ್ಕನಾಯಕನಹಳ್ಳಿ ಹಾಗೂ ಹೊಸದುರ್ಗ ಗಡಿ ಗ್ರಾಮಗಳಲ್ಲಿ ಸೂಕ್ತ ಸಾರಿಗೆ ವ್ಯವಸ್ಥೆ ಇಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸದರಿ ತಾಲ್ಲೂಕುಗಳ ಗ್ರಾಮಗಳಿಗೆ ಸಾರಿಗೆ ವ್ಯವಸ್ಥೆ ಕಲ್ಪಿಸಲು ಸರ್ಕಾರ ಕೈಗೊಂಡ ಕ್ರಮಗಳೇನು ?